


# ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 29-03-2021 ಪ್ರಶ್ನೆ ಸಂಖ್ಯೆ : 2007 (2370)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 29-03-2021

ಉತ್ತರಿಸುವ ಸಚಿವರು: ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು

ವಿಷಯ : ರಾಜ್ಯದಲ್ಲಿರುವ ವೈದ್ಯಕೀಯ ವಿಜ್ಞಾನ ಸಂಸ್ಥೆಗಳ ಬಗ್ಗೆ

(ಅ) ರಾಜ್ಯದಲ್ಲಿರುವ ವೈದ್ಯಕೀಯ ವಿಜ್ಞಾನ ಸಂಸ್ಥೆಗಳನ್ನು ಎ.ಬಿ.ಸಿ ಎಂದು ಯಾವ ಮಾನದಂಡಗಳನ್ನು ಅನುಸರಿಸಿ, ಮೂರು ವಿಭಾಗಗಳಾಗಿ ವಿಂಗಡಿಸಲಾಗಿದೆ; (ವಿವರಗಳನ್ನು ನೀಡುವುದು)

(ಆ) ಈ ರೀತಿ ವಿಂಗಡಿಸುವಾಗ ಕಾನೂನಾತ್ಮಕವಾದ ಪ್ರಕ್ರಿಯೆಗಳನ್ನು ಸಂಪೂರ್ಣವಾಗಿ ಪಾಲಿಸಲಾಗಿದೆಯೇ ; (ವಿವರಗಳನ್ನು ನೀಡುವುದು)

(ಇ) ಈ ರೀತಿ ವಿಂಗಡಣೆಯಾದ ಹಲವು ಗ್ರಾಮೀಣ ಪ್ರದೇಶಗಳಲ್ಲಿರುವ ವೈದ್ಯಕೀಯ ವಿಜ್ಞಾನ ಸಂಸ್ಥೆಗಳಲ್ಲಿ ಹಾಗೂ ಜಿಲ್ಲಾ ಆಸ್ಪತ್ರೆಗಳಲ್ಲಿ ನುರಿತ ಹಾಗೂ ಅನುಭವಿ ವೈದ್ಯರ ಸೇವೆಯಿಂದ ರೋಗಿಗಳು ವಂಚಿತಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ವೈದ್ಯಕೀಯ ವಿಜ್ಞಾನ ಸಂಸ್ಥೆಗಳನ್ನು ವಿಂಗಡಿಸುವುದರಿಂದ ವೈದ್ಯರುಗಳ ಸೇವಾ ಸ್ಥಾನಗಳನ್ನು ನಿರ್ಬಂಧಿಸಲಾಗಿದ್ದು, ಇದು ಅವರ ಸಂವಿಧಾನಾತ್ಮಕ ಹಕ್ಕನ್ನು (ಆರ್ಟಿಕಲ್ 14 ರಿಂದ 22) ಮೊಟಕುಗೊಳಿಸಿದಂತಾಗುತ್ತದೆ ಎಂಬುದನ್ನು ಸರ್ಕಾರ ಮನಗಂಡಿದೆಯೇ ;

(ಉ) ಹಾಗಿದ್ದಲ್ಲಿ, ಸದರಿ ಆದೇಶವನ್ನು ಹಿಂಪಡೆಯಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು?